# ಕರ್ನಾಟಕ ವಿಧಾನಸಭೆ

(15ನೇ ವಿಧಾನಸಭೆ)

ಹತ್ತನೇ ಅಧಿವೇಶನ

## ಕಾರ್ಯಕಲಾಪಗಳ ಪಟ್ಟಿ

ಗುರುವಾರ, ದಿನಾಂಕ 16ನೇ ಸೆಪ್ಟೆಂಬರ್, 2021

(ಸಮಯ: ಬೆಳಿಗ್ಗೆ 11.00 ಗಂಟೆಗೆ)

----

### 1. ಪ್ರಶ್ನೋತ್ತರ

ಅ) ಸದನದಲ್ಲಿ ಉತ್ತರಿಸುವ ಪ್ರಶ್ನೆಗಳು : ನಾಲ್ಕನೇ ಪಟ್ಟಿ

ಆ) ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆಗಳು : ನಾಲ್ಕನೇ ಪಟ್ಟಿ

### 2. ಚುನಾವಣಾ ಪ್ರಸ್ತಾವ

**ಶ್ರೀ ಜೆ.ಸಿ. ಮಾಧುಸ್ವಾಮಿ, (ಮಾನ್ಯ ಸಣ್ಣ ನೀರಾವರಿ ಹಾಗೂ ಕಾನೂನು, ಸಂಸದೀಯ ವ್ಯವಹಾರಗಳು ಮತ್ತು ಶಾಸನ ರಚನೆ ಸಚಿವರು)** ಅವರು:–

ಕರ್ನಾಟಕ ವಿಧಾನಸಭೆಯ ಕಾರ್ಯವಿಧಾನ ಹಾಗೂ ನಡವಳಿಕೆಯ ನಿಯಮಗಳ ಅನುಸಾರವಾಗಿ ವರ್ಗಾಯಿಸಬಹುದಾದ ಒಂಟಿ ಮತದ ಮೂಲಕ ದಾಮಾಷಾ ಪ್ರಾತಿನಿಧ್ಯದ ತತ್ವದ ಆಧಾರದ ಮೇಲೆ:

1) 265(1)ನೇ ನಿಯಮದ ಅನುಸಾರವಾಗಿ **ಸಾರ್ವಜನಿಕ ಲೆಕ್ಕಪತ್ರಗಳ ಸಮಿತಿಗೆ ಹದಿನೈದು ಜನ ಸದಸ್ಯರನ್ನು**
2) 268(1)ನೇ ನಿಯಮದ ಅನುಸಾರವಾಗಿ **ಅಂದಾಜುಗಳ ಸಮಿತಿಗೆ ಹದಿನೆಂಟು ಜನ ಸದಸ್ಯರನ್ನು**
3) 271(1)ನೇ ನಿಯಮದ ಅನುಸಾರವಾಗಿ **ಸಾರ್ವಜನಿಕ ಉದ್ದಿಮೆಗಳ ಸಮಿತಿಗೆ ಹದಿನೈದು ಜನ ಸದಸ್ಯರನ್ನು**
4) 272(1)ನೇ ನಿಯಮದ ಅನುಸಾರವಾಗಿ **ಹಕ್ಕುಬಾಧ್ಯತೆಗಳ ಸಮಿತಿಗೆ ಒಂಭತ್ತು ಜನ ಸದಸ್ಯರನ್ನು**

... 2/ ..

5) 277(1)ನೇ ನಿಯಮದ ಅನುಸಾರವಾಗಿ **ಅಧೀನ ಶಾಸನ ರಚನಾ ಸಮಿತಿಗೆ ಹದಿನೈದು ಜನ ಸದಸ್ಯರನ್ನು**

6) 281ನೇ ನಿಯಮದ ಅನುಸಾರವಾಗಿ **ಸರ್ಕಾರಿ ಭರವಸೆಗಳ ಸಮಿತಿಗೆ ಹದಿನೈದು ಜನ ಸದಸ್ಯರನ್ನು**

7) 283(1)ನೇ ನಿಯಮದ ಅನುಸಾರವಾಗಿ **ಖಾಸಗಿ ವಿಧೇಯಕಗಳ ಹಾಗೂ ನಿರ್ಣಯಗಳ ಸಮಿತಿಗೆ ಹತ್ತು ಜನ ಸದಸ್ಯರನ್ನು**

8) 286ನೇ ನಿಯಮದ ಅನುಸಾರವಾಗಿ **ಅನುಸೂಚಿತ ಜಾತಿ ಮತ್ತು ಅನುಸೂಚಿತ ಪಂಗಡಗಳ ಕಲ್ಯಾಣ ಸಮಿತಿಗೆ ಹದಿನೈದು ಜನ ಸದಸ್ಯರನ್ನು**

9) 288ನೇ ನಿಯಮದ ಅನುಸಾರವಾಗಿ **ಹಿಂದುಳಿದ ವರ್ಗಗಳ ಮತ್ತು ಅಲ್ಪಸಂಖ್ಯಾತರ ಕಲ್ಯಾಣ ಸಮಿತಿಗೆ ಹದಿನೈದು ಜನ ಸದಸ್ಯರನ್ನು**

10) 370(2)ನೇ ನಿಯಮದ ಅನುಸಾರವಾಗಿ **ವಸತಿ ಸೌಕರ್ಯಗಳ ಸಮಿತಿಗೆ ಹನ್ನೆರಡು ಜನ ಸದಸ್ಯರನ್ನು**

ಚುನಾಯಿಸಬೇಕೆಂದು ಕೋರುವುದು.

## 3. ಶಾಸನ ರಚನೆ

### I.ವಿಧೇಯಕಗಳನ್ನು ಮಂಡಿಸುವುದು

**1. ಶ್ರೀ ಬಿ.ಸಿ. ನಾಗೇಶ್ (ಮಾನ್ಯ ಪ್ರಾಥಮಿಕ ಮತ್ತು ಪ್ರೌಢಶಿಕ್ಷಣ ಹಾಗೂ ಸಕಾಲ ಸಚಿವರು) ಅವರು:–**

ಅ) 2021ನೇ ಸಾಲಿನ ಕರ್ನಾಟಕ ರಾಜ್ಯ ಸಿವಿಲ್ ಸೇವೆಗಳು (ಶಿಕ್ಷಕರ ವರ್ಗಾವಣೆ ನಿಯಂತ್ರಣ) (ತಿದ್ದುಪಡಿ) ವಿಧೇಯಕವನ್ನು ಮಂಡಿಸಲು ಅನುಮತಿ ಕೋರುವುದು;

ಆ) ಹಾಗೂ ವಿಧೇಯಕವನ್ನು ಮಂಡಿಸುವುದು.

### II. ವಿಧೇಯಕವನ್ನು ಪರ್ಯಾಲೋಚಿಸುವುದು ಮತ್ತು ಅಂಗೀಕರಿಸುವುದು

**1. ಶ್ರೀ ಬಸವರಾಜ್ ಬೊಮ್ಮಾಯಿ (ಮಾನ್ಯ ಮುಖ್ಯಮಂತ್ರಿಗಳು) ಅವರು:–**

ಅ) 2021ನೇ ಸಾಲಿನ ಬೆಂಗಳೂರು ನೀರು ಸರಬರಾಜು ಮತ್ತು ಗ್ರಾಮಸಾರ ಚರಂಡಿ ವ್ಯವಸ್ಥೆ (ತಿದ್ದುಪಡಿ) ವಿಧೇಯಕವನ್ನು ಪರ್ಯಾಲೋಚಿಸಬೇಕೆಂದು ಸೂಚಿಸುವುದು;

ಆ) ಹಾಗೂ ವಿಧೇಯಕವನ್ನು ಅಂಗೀಕರಿಸಬೇಕೆಂದು ಸೂಚಿಸುವುದು.

**2. ಶ್ರೀ ಕೆ.ಎಸ್. ಈಶ್ವರಪ್ಪ (ಮಾನ್ಯ ಗ್ರಾಮೀಣಾಭಿವೃದ್ಧಿ ಮತ್ತು ಪಂಚಾಯತ್ ರಾಜ್ ಸಚಿವರು) ಅವರು:–**

ಅ) 2021ನೇ ಸಾಲಿನ ಕರ್ನಾಟಕ ಗ್ರಾಮ ಸ್ವರಾಜ್ ಮತ್ತು ಪಂಚಾಯತ್ (ತಿದ್ದುಪಡಿ) ವಿಧೇಯಕವನ್ನು ಪರ್ಯಾಲೋಚಿಸಬೇಕೆಂದು ಸೂಚಿಸುವುದು;

ಆ) ಹಾಗೂ ವಿಧೇಯಕವನ್ನು ಅಂಗೀಕರಿಸಬೇಕೆಂದು ಸೂಚಿಸುವುದು.

**3. ಶ್ರೀ ಬಿ.ಸಿ. ಪಾಟೀಲ್ (ಮಾನ್ಯ ಕೃಷಿ ಸಚಿವರು) ಅವರು:–**

ಅ) 2021ನೇ ಸಾಲಿನ ಕರ್ನಾಟಕ ಕೃಷಿ ಸಂಬಂಧಿ ಕೀಟಗಳು ಮತ್ತು ರೋಗಗಳ (ತಿದ್ದುಪಡಿ) ವಿಧೇಯಕವನ್ನು ಪರ್ಯಾಲೋಚಿಸಬೇಕೆಂದು ಸೂಚಿಸುವುದು;

ಆ) ಹಾಗೂ ವಿಧೇಯಕವನ್ನು ಅಂಗೀಕರಿಸಬೇಕೆಂದು ಸೂಚಿಸುವುದು.

## 4. ನಿಯಮ 69ರ ಮೇರೆಗೆ ಸಾರ್ವಜನಿಕ ಮಹತ್ವದ ಜರೂರು ವಿಷಯಗಳ ಬಗ್ಗೆ ಅಲ್ಪ ಕಾಲಾವಧಿ ಚರ್ಚೆ

1) **ಶ್ರೀಯುತರುಗಳಾದ ಸಿದ್ದರಾಮಯ್ಯ, ಡಿ.ಕೆ. ಶಿವಕುಮಾರ್, ಕೆ.ಆರ್. ರಮೇಶ್ ಕುಮಾರ್, ಹೆಚ್.ಕೆ. ಪಾಟೀಲ್, ಕೆ.ಜೆ. ಜಾರ್ಜ್, ಡಾ. ಅಜಯ್ ಧರ್ಮಸಿಂಗ್ ಹಾಗೂ ಇತರರು** – ವಿವಿಧ ಧಾನ್ಯಗಳ, ಅಡುಗೆ ಅನಿಲ, ಪೆಟ್ರೋಲ್, ಡೀಸೆಲ್, ಔಷಧಿ ಸೇರಿದಂತೆ ಇತರೆ ಜೀವನಾವಶ್ಯಕ ವಸ್ತುಗಳ ಬೆಲೆ ಏರಿಕೆಯಿಂದಾಗಿ ಜನರ ಬದುಕು ಶೋಚನೀಯವಾಗಿರುವ ಬಗ್ಗೆ ಪ್ರಸ್ತಾಪಿಸಲು ನೀಡಿರುವ ಸೂಚನೆಯ ಮೇಲೆ ಮುಂದುವರೆದ ಚರ್ಚೆ.

2) **ಶ್ರೀಯುತರುಗಳಾದ ಹೆಚ್.ಡಿ. ರೇವಣ್ಣ, ಹೆಚ್.ಡಿ. ಕುಮಾರ ಸ್ವಾಮಿ, ಸಿ.ಎನ್. ಬಾಲಕೃಷ್ಣ, ಸಿ.ಎಸ್. ಪುಟ್ಟರಾಜು ಹಾಗೂ ಕೆ.ಎಸ್. ಲಿಂಗೇಶ್** – ರಾಜ್ಯದಲ್ಲಿ ಪ್ರಗತಿ ಹಂತದಲ್ಲಿರುವ ವಿವಿಧ ಇಲಾಖೆಗಳ ಕಾಮಗಾರಿಗಳನ್ನು ಅನುಷ್ಠಾನಗೊಳಿಸಲು ಆದೇಶವನ್ನು ಹೊರಡಿಸುವ ಬಗ್ಗೆ ಪ್ರಸ್ತಾಪಿಸಲು ನೀಡಿರುವ ಸೂಚನೆಯ ಮೇಲೆ ಚರ್ಚೆ.

... 4/ ..

## 5. ಗಮನ ಸೆಳೆಯುವ ಸೂಚನೆಗಳು

1) **ಶ್ರೀ ಎಚ್.ಕೆ. ಪಾಟೀಲ್ ಅವರು –** ಬಾಗಲಕೋಟೆ ಜಿಲ್ಲೆ ಬಾದಾಮಿ ತಾಲ್ಲೂಕಿನ ಮಹಾಕೂಟ ಶಿವಯೋಗಿ ಮಂದಿರದ ಬಳಿ ನದಿ ಸ್ನಾನಕ್ಕೆ ಅಗತ್ಯ ಸುರಕ್ಷತಾ ವ್ಯವಸ್ಥೆಗಳನ್ನು ಕಲ್ಪಿಸುವ ಬಗ್ಗೆ ಮಾನ್ಯ ಜಲಸಂಪನ್ಮೂಲ ಸಚಿವರ ಗಮನ ಸೆಳೆಯುವುದು.

2) **ಶ್ರೀ ಯಶವಂತರಾಯಗೌಡ ವಿಠ್ಠಲಗೌಡ ಪಾಟೀಲ್ ಅವರು** – ವಿಜಯಪುರ ಜಿಲ್ಲೆ ಇಂಡಿ ತಾಲ್ಲೂಕಿನ ಸಾರ್ವಜನಿಕ ಗ್ರಂಥಾಲಯಕ್ಕೆ ಸುಸಜ್ಜಿತವಾದ ಕಟ್ಟಡ ಹಾಗೂ ಮೂಲಭೂತ ಸೌಲಭ್ಯಗಳನ್ನು ಒದಗಿಸುವ ಬಗ್ಗೆ ಮಾನ್ಯ ಪ್ರಾಥಮಿಕ ಮತ್ತು ಪ್ರೌಢ ಶಿಕ್ಷಣ ಹಾಗೂ ಸಕಾಲ ಸಚಿವರ ಗಮನ ಸೆಳೆಯುವುದು.

3) **ಶ್ರೀ ಜಿ. ಸೋಮಶೇಖರ್ ರೆಡ್ಡಿ ಅವರು** – ರಾಜ್ಯದ ಸರ್ಕಾರಿ ಪದವಿ ಪೂರ್ವ ಕಾಲೇಜುಗಳಲ್ಲಿ ಕರ್ತವ್ಯ ನಿರ್ವಹಿಸುತ್ತಿರುವ ಅತಿಥಿ ಉಪನ್ಯಾಸಕರುಗಳಿಗೆ ಸೇವಾ ಪ್ರಮಾಣ ಪತ್ರ, ಗುರುತಿನ ಚೀಟಿಯನ್ನು ನೀಡಿ, ಸೇವಾ ಭದ್ರತೆಯನ್ನು ಘೋಷಿಸಿ, ಗೌರವ ಧನವನ್ನು ಹೆಚ್ಚಿಸುವ ಬಗ್ಗೆ ಮಾನ್ಯ ಪ್ರಾಥಮಿಕ ಮತ್ತು ಪ್ರೌಢಶಿಕ್ಷಣ ಹಾಗೂ ಸಕಾಲ ಸಚಿವರ ಗಮನ ಸೆಳೆಯುವುದು.

4) **ಶ್ರೀ ಪ್ರಿಯಾಂಕ ಖರ್ಗೆ ಅವರು** – ಚಿತ್ತಾಪುರ ಪುರಸಭೆ ವ್ಯಾಪ್ತಿಯಲ್ಲಿ ಬರುವ ಪರಿಶಿಷ್ಟ ಜಾತಿ ಮತ್ತು ಪರಿಶಿಷ್ಟ ಪಂಗಡಗಳ ಜನ ವಸತಿ ಪ್ರದೇಶಗಳಲ್ಲಿ ಮೂಲಭೂತ ಸೌಕರ್ಯಗಳನ್ನು ಅಭಿವೃದ್ಧಿ ಪಡಿಸುವ ಬಗ್ಗೆ ಮಾನ್ಯ ಪೌರಾಡಳಿತ, ಸಣ್ಣ ಕೈಗಾರಿಕೆಗಳು ಹಾಗೂ ಸಾರ್ವಜನಿಕ ವಲಯ ಉದ್ಯಮಗಳ ಸಚಿವರ ಗಮನ ಸೆಳೆಯುವುದು.

5) **ಶ್ರೀ ಕೆ.ಎಸ್. ಲಿಂಗೇಶ್ ಅವರು** – ಬೇಲೂರು ವಿಧಾನಸಭಾ ಕ್ಷೇತ್ರದ ಅರಸಿಕೆರೆ ತಾಲ್ಲೂಕಿನ ಜಾವಗಲ್‌ನಲ್ಲಿ ಹಾಲಿಯಿರುವ ಪ್ರಾಥಮಿಕ ಆರೋಗ್ಯ ಕೇಂದ್ರವನ್ನು ಮೇಲ್ದರ್ಜೆಗೇರಿಸುವ ಬಗ್ಗೆ ಮಾನ್ಯ ಆರೋಗ್ಯ ಮತ್ತು ಕುಟುಂಬ ಕಲ್ಯಾಣ ಹಾಗೂ ವೈದ್ಯಕೀಯ ಶಿಕ್ಷಣ ಸಚಿವರ ಗಮನ ಸೆಳೆಯುವುದು.

6) **ಡಾ. ಕೆ. ಶ್ರೀನಿವಾಸಮೂರ್ತಿ ಅವರು** – ನೆಲಮಂಗಲ ನಗರಸಭೆ ವ್ಯಾಪ್ತಿಯಲ್ಲಿ ಹೆಣ್ಣು ಮಕ್ಕಳ ವಿದ್ಯಾರ್ಥಿ ವಸತಿ ನಿಲಯದ ನಿರ್ಮಾಣದ ಬಗ್ಗೆ ಮಾನ್ಯ ಸಮಾಜ ಕಲ್ಯಾಣ ಹಾಗೂ ಹಿಂದುಳಿದ ವರ್ಗಗಳ ಕಲ್ಯಾಣ ಸಚಿವರ ಗಮನ ಸೆಳೆಯುವುದು.

7) **ಶ್ರೀ ಪಿ.ಟಿ. ಪರಮೇಶ್ವರ ನಾಯ್ಕ್ ಅವರು** – ವಿಜಯನಗರ ಜಿಲ್ಲೆಯ ಹಡಗಲಿ ತಾಲ್ಲೂಕಿನ ವ್ಯಾಪ್ತಿಯಲ್ಲಿ ಸಿಂಗಟಾಲೂರು ಏತ ನೀರಾವರಿ ಯೋಜನೆಗೆ ಭೂಮಿ ಕಳೆದುಕೊಂಡ ರೈತರಿಗೆ ಭೂ ಪರಿಹಾರ ನೀಡುವ ಬಗ್ಗೆ ಮಾನ್ಯ ಜಲಸಂಪನ್ಮೂಲ ಸಚಿವರ ಗಮನ ಸೆಳೆಯುವುದು.

... 5/ ..

8) **ಶ್ರೀ ಅಮರೇಗೌಡ ಪಾಟೀಲ್ ಬಯ್ಯಾಪುರ್ ಅವರು** – "ನಮ್ಮ ಗ್ರಾಮ ನಮ್ಮ ರಸ್ತೆ" ಯೋಜನೆಯ ಪರಿಶಿಷ್ಟ ಜಾತಿ ಮತ್ತು ಪರಿಶಿಷ್ಟ ಪಂಗಡದ ಕಾರ್ಯಕ್ರಮದ ಹಣ ಬಿಡುಗಡೆಯಲ್ಲಿ ಉಂಟಾಗಿರುವ ತಾರತಮ್ಯದ ಬಗ್ಗೆ ಮಾನ್ಯ ಗ್ರಾಮೀಣಾಭಿವೃದ್ಧಿ ಮತ್ತು ಪಂಚಾಯತ್ ರಾಜ್ ಸಚಿವರ ಗಮನ ಸೆಳೆಯುವುದು.

9) **ಶ್ರೀ ಟಿ. ರಘುಮೂರ್ತಿ ಅವರು** – ಚಳ್ಳಕೆರೆ ನಗರದ ಸ್ಲಂ ನಿವಾಸಿಗಳಿಗೆ ವಸತಿ ಇಲಾಖೆಯು ಕೊಳಚೆರಂಡಿ ಮಂಡಳಿಯ ಮುಖಾಂತರ ಮಂಜೂರು ಮಾಡಿರುವ ಮನೆಗಳ ಕಾಮಗಾರಿಯ ಪ್ರಗತಿಯು ಕುಂಠಿತವಾಗಿರುವ ಬಗ್ಗೆ ಮಾನ್ಯ ವಸತಿ ಹಾಗೂ ಮೂಲಸೌಲಭ್ಯ ಅಭಿವೃದ್ಧಿ ಸಚಿವರ ಗಮನ ಸೆಳೆಯುವುದು.

10) **ಶ್ರೀ ಸಿ. ಪುಟ್ಟರಂಗಶೆಟ್ಟಿ ಅವರು** – ಚಾಮರಾಜನಗರ ವ್ಯಾಪ್ತಿಯ ಪಾಚಪ್ಪ ಸರ್ಕಲ್‌ನಿಂದ ರಾಮಸಮುದ್ರದವರೆಗಿನ ರಸ್ತೆ ಕಾಮಗಾರಿಯನ್ನು ಶೀಘ್ರವಾಗಿ ಪೂರ್ಣಗೊಳಿಸುವ ಬಗ್ಗೆ ಮಾನ್ಯ ನಗರಾಭಿವೃದ್ಧಿ ಸಚಿವರ ಗಮನ ಸೆಳೆಯುವುದು.

11) **ಶ್ರೀ ಡಿ. ವೇದವ್ಯಾಸ ಕಾಮತ್ ಅವರು** – ಬೀದರ್‌ನಲ್ಲಿ ಕಾರ್ಯನಿರ್ವಹಿಸುತ್ತಿರುವ ಮೀನುಗಾರಿಕಾ ವಿಶ್ವವಿದ್ಯಾನಿಲಯವನ್ನು ಮಂಗಳೂರಿಗೆ ಸ್ಥಳಾಂತರಿಸುವ ಬಗ್ಗೆ ಮಾನ್ಯ ಮೀನುಗಾರಿಕೆ, ಬಂದರು ಮತ್ತು ಒಳನಾಡು ಜಲಸಾರಿಗೆ ಸಚಿವರ ಗಮನ ಸೆಳೆಯುವುದು.

12) **ಶ್ರೀ ದಿನಕರ ಕೆ. ಶೆಟ್ಟಿ ಅವರು** – ಉತ್ತರ ಕನ್ನಡ ಜಿಲ್ಲೆಯ ಕುಮಟಾ–ಹೊನ್ನಾವರ ವ್ಯಾಪ್ತಿಯಲ್ಲಿನ ಕೊಡ್ಕಣಿ–ಹೈಗಳ್–ಕುರ್ವೆ, ಬೋಗ್ರಿಬೈಲ್–ಉಪ್ಪಿನಪಟ್ಟಣ ಹಾಗೂ ಗಂಗಾವಳಿ–ಮಂಜುಗುಣಿ ಸೇತುವೆಗಳ ನಿರ್ಮಾಣ ಕಾಮಗಾರಿಯನ್ನು ಶೀಘ್ರವಾಗಿ ಪೂರ್ಣಗೊಳಿಸುವ ಬಗ್ಗೆ ಮಾನ್ಯ ಲೋಕೋಪಯೋಗಿ ಸಚಿವರ ಗಮನ ಸೆಳೆಯುವುದು.

## 6. ಅರ್ಧ ಗಂಟೆ ಕಾಲಾವಧಿ ಚರ್ಚೆ

1) **ಶ್ರೀ ಕೆ. ಅನ್ನದಾನಿ ಅವರು** – ಮಂಡ್ಯ ಸಕ್ಕರೆ ಕಾರ್ಖಾನೆಯನ್ನು ಖಾಸಗೀಕರಣಗೊಳಿಸುವುದನ್ನು ಸ್ಥಗಿತಗೊಳಿಸಿ ಸರ್ಕಾರಿ ಸ್ವಾಮ್ಯದ ಒಡೆತನದಲ್ಲಿಯೇ ಮುಂದುವರೆಸುವ ಬಗ್ಗೆ ದಿನಾಂಕ:14.09.2021ರ ಶೂನ್ಯವೇಳೆಯಲ್ಲಿ ಒದಗಿಸಿರುವ ಉತ್ತರಕ್ಕೆ ಸಂಬಂಧಿಸಿದಂತೆ ಅರ್ಧ ಗಂಟೆ ಕಾಲ ಚರ್ಚಿಸುವುದು.

... 6/ ..

2) **ಶ್ರೀ ಜೆ.ಎನ್. ಗಣೇಶ್ ಅವರು** – ಪರಿಶಿಷ್ಟ ಪಂಗಡಕ್ಕೆ ಮೀಸಲಾತಿಯನ್ನು ಘೋಷಣೆ ಮಾಡುವುದಕ್ಕೆ ಸಂಬಂಧಿಸಿದಂತೆ ನಿವೃತ್ತ ನ್ಯಾಯಮೂರ್ತಿ ನೇತೃತ್ವದ ತ್ರಿಸದಸ್ಯ ಸಮಿತಿ ರಚನೆ ಮಾಡಿರುವ ಬಗ್ಗೆ ದಿನಾಂಕ: 15.09.2021ರ ಗಮನ ಸೆಳೆಯುವ ಸೂಚನೆಗೆ ಒದಗಿಸಿರುವ ಉತ್ತರಕ್ಕೆ ಸಂಬಂಧಿಸಿದಂತೆ ಅರ್ಧ ಗಂಟೆ ಕಾಲ ಚರ್ಚಿಸುವುದು.

3) **ಶ್ರೀ ಎ.ಟಿ. ರಾಮಸ್ವಾಮಿ ಅವರು** – ಭಾರಿ ಪ್ರಮಾಣದ ಸರ್ಕಾರಿ ಜಮೀನುಗಳು ಸುಳ್ಳು ದಾಖಲೆಗಳ ಮೂಲಕ ಭೂಗಳ್ಳರ ಪಾಲಾಗುತ್ತಿರುವ ಬಗ್ಗೆ ದಿನಾಂಕ: 15.09.2021ರ ಗಮನ ಸೆಳೆಯುವ ಸೂಚನೆಗೆ ಒದಗಿಸಿರುವ ಉತ್ತರಕ್ಕೆ ಸಂಬಂಧಿಸಿದಂತೆ ಅರ್ಧ ಗಂಟೆ ಕಾಲ ಚರ್ಚಿಸುವುದು.

**ಎಂ.ಕೆ. ವಿಶಾಲಾಕ್ಷಿ**
**ಕಾರ್ಯದರ್ಶಿ(ಪ್ರ)**

**ವಿಧಾನಸಭೆಯ ಕಾರ್ಯಕಲಾಪಗಳ ಪಟ್ಟಿಯನ್ನು ವೆಬ್‌ಸೈಟ್‌ನಲ್ಲಿಯೂ ಸಹ ಪಡೆದುಕೊಳ್ಳಬಹುದು.**
http://kla.kar.nic.in/assembly/lob/lob.htm